ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಗುರುವಾರ, ದಿನಾಂಕ : 12 ನೇ ಮಾರ್ಚ್, 2020

ಸಣ್ಣ ಕೈಗಾರಿಕೆಗಳ ಸ್ಥಾಪನೆ ಬಗ್ಗೆ

ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

731 (892) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದ ಪಟ್ಟಣ ಹಾಗೂ ಗ್ರಾಮೀಣ ಪ್ರದೇಶಗಳಲ್ಲಿ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಸರ್ಕಾರವು ರೂಪಿಸಿರುವ ಯೋಜನೆಗಳು ಯಾವುವು ; ಈ ಯೋಜನೆಗಳಡಿ ಕಳೆದ 3 ವರ್ಷಗಳಲ್ಲಿ ಹಾಸನ ಜಿಲ್ಲೆಯಲ್ಲಿ ಸ್ಥಾಪನೆಯಾದ ಸಣ್ಣ ಕೈಗಾರಿಕೆಗಳ ಮಾಹಿತಿ ನೀಡುವುದು ; (ಆದೇಶದ ಪ್ರತಿಯೊಂದಿಗೆ ಸಂಪೂರ್ಣ ವಿವರಗಳನ್ನು ನೀಡುವುದು)

(ಆ) ಹಾಸನ ಜಿಲ್ಲಾ ವ್ಯಾಪ್ತಿಯಲ್ಲಿ ಯಾವ ಯಾವ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಅವಕಾಶಗಳಿವೆ ; ಮತ್ತು ಸಣ್ಣ ಕೈಗಾರಿಕೆಗಳ ಒಂದು ಕೈಗಾರಿಕಾ ಪ್ರದೇಶ ಸ್ಥಾಪಿಸಲು ಇರುವಂತಹ ಮಾನದಂಡಗಳೇನು; (ಸಂಪೂರ್ಣ ವಿವರ ನೀಡುವುದು)

(ಇ) ಪರಿಶಿಷ್ಟ ಜಾತಿ, ಪರಿಶಿಷ್ಟ ವರ್ಗ ಮತ್ತು ಹಿಂದುಳಿದ ವರ್ಗದವರಿಗೆ ಸಣ್ಣ ಕೈಗಾರಿಕೆಗಳನ್ನು ಸ್ಥಾಪಿಸಲು ಸರ್ಕಾರದ ವತಿಯಿಂದ ಯಾವ ಯಾವ ಯೋಜನೆಗಳನ್ನು ರೂಪಿಸಿ ಅವರಿಗೆ ಸಾಲ ಸೌಲಭ್ಯ ಸಹಾಯ ಧನ ನೀಡಲಾಗುತ್ತಿದೆ ? (ಸಂಪೂರ್ಣ ವಿವರ ನೀಡುವುದು)